ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 23ನೇ ಮಾರ್ಚ್, 2020

ಖಾಸಗಿ ಮೆಡಿಕಲ್ ಕಾಲೇಜುಗಳಲ್ಲಿ ಅಭ್ಯಸಿಸಿ, ಇಂಟರ್ನ್‌ಶಿಪ್ ಮಾಡುತ್ತಿರುವ ವೈದ್ಯಕೀಯ ವಿದ್ಯಾರ್ಥಿಗಳಿಗೆ ಸ್ಟೈಫಂಡ್ ನೀಡದಿರುವ ಬಗ್ಗೆ

ಶ್ರೀ ಕೆ.ಎ. ತಿಪ್ಪೇಸ್ವಾಮಿ (ನಾಮನಿರ್ದೇಶನ ಹೊಂದಿದವರು):-

1478 (1752) ಮಾನ್ಯ ವೈದ್ಯಕೀಯ ಶಿಕ್ಷಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಖಾಸಗಿ ಮೆಡಿಕಲ್ ಕಾಲೇಜುಗಳಲ್ಲಿ ಅಭ್ಯಸಿಸಿ, ಇಂಟರ್ನ್‌ಶಿಪ್ ಮಾಡುತ್ತಿರುವ ವೈದ್ಯಕೀಯ ವಿದ್ಯಾರ್ಥಿಗಳಿಗೆ ಸ್ಟೈಫಂಡ್ ನೀಡದೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ, ರಾಜ್ಯದಲ್ಲಿ ಸ್ಟೈಫಂಡ್ ನೀಡರ್ದೆ ಇರುವ ಖಾಸಗಿ ವೈದ್ಯಕೀಯ ಕಾಲೇಜುಗಳು ಯಾವುವು; (ಪೂರ್ಣ ಮಾಹಿತಿ ನೀಡುವುದು)

(ಆ) ಸ್ಟೈಫಂಡ್‌ನ್ನು ವೈದ್ಯಕೀಯ ವಿದ್ಯಾರ್ಥಿಗಳಿಗೆ ಎಂಸಿಐ ನಿಯಮಗಳ ಪ್ರಕಾರ, ಖಾಸಗಿ ಕಾಲೇಜುಗಳು ನೀಡಬೇಕಾಗಿರುವುದು ನ್ಯಾಯಬದ್ಧವಲ್ಲವೇ; ಹಾಗಿದ್ದಲ್ಲಿ, ರಾಜ್ಯ ಸರ್ಕಾರ ರೂಪಿಸಿರುವ ನಿಯಮಾವಳಿಗಳು ಯಾವುವು; (ಪೂರ್ಣ ವಿವರ ನೀಡುವುದು)

(ಇ) ರಾಜ್ಯದಲ್ಲಿ ಕೆಲವೊಂದು ವೈದ್ಯಕೀಯ ಕಾಲೇಜುಗಳು ಮುಂಗಡವಾಗಿ ವೈದ್ಯಕೀಯ ವಿದ್ಯಾರ್ಥಿಗಳಿಂದ ವಸೂಲಿ ಮಾಡಿಕೊಂಡು, ತದನಂತರ ಅವರುಗಳಿಗೆ ಪಾವತಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ, ಇಂತಹ ವೈದ್ಯಕೀಯ ಕಾಲೇಜುಗಳ ಮೇಲೆ ಸರ್ಕಾರ ಕೈಗೊಂಡ ಕ್ರಮಗಳೇನು ?